ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 19 ನೇ ಮಾರ್ಚ್, 2020

ಶಿಷ್ಟಾಚಾರ ಉಲ್ಲಂಘನೆ ಪ್ರಕರಣಗಳ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

1287 (1508) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಹಾಸನ ಜಿಲ್ಲೆಯಲ್ಲಿ ಸರ್ಕಾರದ ಶಿಷ್ಟಾಚಾರ ಉಲ್ಲಂಘನೆ ಮಾಡುತ್ತಿರುವ ಪ್ರಕರಣಗಳು ಹೆಚ್ಚಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕಳೆದ 3 ವರ್ಷಗಳಲ್ಲಿ ಎಷ್ಟು ಪ್ರಕರಣಗಳು ಕಂಡು ಬಂದಿವೆ; (ಪ್ರಕರಣವಾರು ಮಾಹಿತಿ ನೀಡುವುದು)

(ಆ) ಈ ಪ್ರಕರಣಗಳಲ್ಲಿ ಸರ್ಕಾರದ ಶಿಷ್ಟಾಚಾರ ಉಲ್ಲಂಘನೆ ಮಾಡಿರುವ ಅಧಿಕಾರಿಗಳ ವಿರುದ್ಧ ಏನಾದರೂ ಕ್ರಮ ಕೈಗೊಳ್ಳಲಾಗಿದೆಯೇ; ಕ್ರಮ ಕೈಗೊಂಡಿದ್ದಲ್ಲಿ, ಪ್ರಕರಣವಾರು ಮಾಹಿತಿ ನೀಡುವುದು;

(ಇ) ಶಿಷ್ಟಾಚಾರ ಪಾಲನೆ ಮಾಡುವ ಸಂಬಂಧ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯಿಂದ ಹೊರಡಿಸಲಾದ ಆದೇಶ/ ಸುತ್ತೋಲೆಗಳನ್ನು ಉಲ್ಲಂಘನೆ ಮಾಡುತ್ತಿರುವ ಪ್ರಕರಣಗಳು ಹೆಚ್ಚಾಗಿರುವುದರಿಂದ ಶಿಷ್ಟಾಚಾರ ಪಾಲನೆ ಮಾಡಲು ಇನ್ನಷ್ಟು ಪರಿಣಾಮಕಾರಿ ಕಾನೂನು ರೂಪಿಸಲು ಸರ್ಕಾರವು ಕ್ರಮ ಕೈಗೊಳ್ಳುವುದೇ; ಹಾಗಿದ್ದಲ್ಲಿ, ಯಾವಾಗ ಕೈಗೊಳ್ಳುವುದು? (ಮಾಹಿತಿ ನೀಡುವುದು)